ಲಿಖಿತ ಮೂಲಕ ಉತ್ತರಿಸುವ ಪ್ರಶ್ನೆ



ಕರ್ನಾಟಕ ವಿಧಾನ ಪರಿಷತ್ತು

ನೂರ ನಲವತ್ತೊಂದನೆಯ ಅಧಿವೇಶನ

ಸೋಮವಾರ, ದಿನಾಂಕ : 21 ನೇ ಸೆಪ್ಟೆಂಬರ್, 2020

ಸರ್ಕಾರಿ ಪ್ರಥಮ ದರ್ಜೆ ಕಾಲೇಜುಗಳ ಅತಿಥಿ ಉಪನ್ಯಾಸಕರುಗಳಿಗೆ ಗೌರವಧನ ನೀಡುವ ಬಗ್ಗೆ

ಶ್ರೀ ಬಸವರಾಜ ಶಿವಲಿಂಗಪ್ಪ ಹೊರಟ್ಟಿ(ಶಿಕ್ಷಕರ ಕ್ಷೇತ್ರ) -

12 (102) ಮಾನ್ಯ ಉಪ ಮುಖ್ಯಮಂತ್ರಿಗಳು ಹಾಗೂ ಉನ್ನತ ಶಿಕ್ಷಣ, ಮಾಹಿತಿ ತಂತ್ರಜ್ಞಾನ, ಜೈವಿಕ ತಂತ್ರಜ್ಞಾನ ಹಾಗೂ ವಿಜ್ಞಾನ ಮತ್ತು ತಂತ್ರಜ್ಞಾನ, ಕೌಶಲ್ಯಾಭಿವೃದ್ಧಿ, ಉದ್ಯಮಶೀಲತೆ ಮತ್ತು ಜೀವನೋಪಾಯ ಸಚಿವರು ಈ ವಿಷಯಗಳನ್ನು ದಯವಿಟ್ಟು ತಿಳಿಸುವರೆ -

(ಅ) ಉನ್ನತ ಶಿಕ್ಷಣ ಇಲಾಖೆಯ ಆಯುಕ್ತಾಲಯದ ವ್ಯಾಪ್ತಿಯಲ್ಲಿ ಕಾರ್ಯ ನಿರ್ವಹಿಸುತ್ತಿರುವ ಅತಿಥಿ ಉಪನ್ಯಾಸಕರ ಸಂಖ್ಯೆ ಎಷ್ಟು; ಇವರುಗಳು ಯಾವ ವರ್ಷದಿಂದ ಕರ್ತವ್ಯ ನಿರ್ವಹಿಸುತ್ತಿದ್ದಾರೆ; (ಜಿಲ್ಲಾವಾರು ಮಾಹಿತಿ ನೀಡುವುದು)

(ಆ) ಸದರಿಯವರಿಗೆ ಹಾಲಿ ನೀಡುತ್ತಿರುವ ಗೌರವ ಧನ ಎಷ್ಟು; ಈ ಗೌರವ ಧನವನ್ನು ಹೆಚ್ಚಿಸಲು ಸರ್ಕಾರ ಚಿಂತನೆ ನಡೆಸಿದೆಯೇ; (ವಿವರವಾದ ಮಾಹಿತಿ ನೀಡುವುದು)

(ಇ) ಅತಿಥಿ ಉಪನ್ಯಾಸಕರಿಗೆ ಸೇವಾ ಭದ್ರತೆ ಒದಗಿಸಲು ಸರ್ಕಾರವು ಇಲ್ಲಿಯವರೆಗೆ ಯಾವ ಕ್ರಮ ಕೈಗೊಂಡಿದೆ; (ವಿವರವಾದ ಮಾಹಿತಿ ನೀಡುವುದು)

(ಈ) ಯುಜಿಸಿ ನಿಯಮಗಳಿಗೆ ಹೊಂದಿಕೊಂಡಂತೆ ವಿಶೇಷ ನಿಯಮಗಳನ್ನು ರಚಿಸಿ, ಅತಿಥಿ ಉಪನ್ಯಾಸಕರಿಗೆ ಸೇವಾ ಭದ್ರತೆಯನ್ನು ನೀಡಲು ಸರ್ಕಾರಕ್ಕೆ ಇರುವ ತೊಂದರೆಗಳೇನು; (ಸಂಪೂರ್ಣ ಮಾಹಿತಿ ನೀಡುವುದು)

(ಉ) ಅತಿಥಿ ಉಪನ್ಯಾಸಕರಿಗೆ ಸುಮಾರು 8 ತಿಂಗಳಿಂದ ಗೌರವ ಧನ ಪಾವತಿ ಆಗದಿರುವುದು ನಿಜವೇ; ಹಾಗಿದ್ದಲ್ಲಿ, ಯಾವ ಕಾಲಮಿತಿಯೊಳಗೆ ಇವರಿಗೆ ಗೌರವ ಧನ ಪಾವತಿಸಲಾಗುವುದು?